ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಬುಧವಾರ, ದಿನಾಂಕ : 04 ನೇ ಮಾರ್ಚ್, 2020

ವಸತಿ ಶಾಲೆಗಳ ಸಮಸ್ಯೆ ಹಾಗೂ ಸಿಬ್ಬಂದಿ ನೇಮಕಾತಿ ಕುರಿತು

ಶ್ರೀಕವಟಗಿಮಠಮಹಾಂತೇಶಮಲ್ಲಿಕಾರ್ಜುನ(ಸ್ಥಳೀಯಸಂಸ್ಥೆಗಳಕ್ಷೇತ್ರ):-

198 (394) ಮಾನ್ಯ ಉಪ ಮುಖ್ಯಮಂತ್ರಿಗಳು (ಲೋಕೋಪಯೋಗಿ ಮತ್ತು ಸಮಾಜ ಕಲ್ಯಾಣ ಸಚಿವರು) ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಸಮಾಜ ಕಲ್ಯಾಣ ಇಲಾಖೆ ವತಿಯಿಂದ ಹಲವಾರು ವಸತಿ ಶಾಲೆಗಳನ್ನು ನಡೆಸುತ್ತಿದ್ದು, ಈ ವಸತಿ ಶಾಲೆಗಳಲ್ಲಿ ಮೂಲ ಸೌಕರ್ಯಗಳಿಲ್ಲದೇ ವಿದ್ಯಾರ್ಥಿಗಳು ಸಮಸ್ಯೆ ಎದುರಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ವಿವಿಧ ಶೀರ್ಷಿಕೆಯಡಿ ಇಲಾಖೆ ನಡೆಸುತ್ತಿರುವ ವಸತಿ ಶಾಲೆಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು ಮಾಹಿತಿ ನೀಡುವುದು)

(ಇ) ಈ ವಸತಿ ಶಾಲೆಗಳಿಗಾಗಿ ಒಟ್ಟು ಮಂಜೂರಾದ ಶಿಕ್ಷಕ ಹಾಗೂ ಶಿಕ್ಷಕೇತರ ಸಿಬ್ಬಂದಿಗಳ ಸಂಖ್ಯೆ ಎಷ್ಟು;

(ಈ) ಈ ಸಿಬ್ಬಂದಿಗಳಲ್ಲಿ ಎಷ್ಟು ಜನ ಶಾಶ್ವತ ಹಾಗೂ ಗುತ್ತಿಗೆ ಆಧಾರದ ಮೇಲೆ ಕೆಲಸ ಮಾಡುತ್ತಿದ್ದಾರೆ (ಜಿಲ್ಲಾವಾರು ಮಾಹಿತಿ ನೀಡುವುದು)

(ಉ) ಸರ್ಕಾರವು ಗುತ್ತಿಗೆ ಆಧಾರದ ಮೇಲೆ ಶಿಕ್ಷಕ ಸಿಬ್ಬಂದಿಗಳನ್ನು ನೇಮಿಸುತ್ತಿದ್ದು, ಅವರಿಗೆ ಕಡಿಮೆ ಸಂಬಳ ನೀಡುತ್ತಿರುವುದರಿಂದ ಗುಣಾತ್ಮಕ ಶಿಕ್ಷಣವನ್ನು ನೀಡುವಲ್ಲಿ ವೈಫಲ್ಯರಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಊ) ಬಂದಿದ್ದಲ್ಲಿ, ಗುತ್ತಿಗೆ ನೌಕರರ ಸಂಬಳವನ್ನು ಹೆಚ್ಚಿಸಲು ಅಥವಾ ಈ ಹುದ್ದೆಗಳಗೆ ಶಾಶ್ವತ ನೇಮಕಾತಿ ಮಾಡಲು ಸರ್ಕಾರ ಆಲೋಚಿಸಿದೆಯೇ;

(ಋ) ಇದ್ದಲ್ಲಿ, ಇದನ್ನು ಯಾವ ಕಾಲಮಿತಿಯೊಳಗೆ ಪೂರ್ಣಗೊಳಿಸಲಾಗುವುದು ?